

**ಕರ್ನಾಟಕ ವಿಧಾನ ಪರಿಷತ್ತು**

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 1981 |
| ಸದಸ್ಯರ ಹೆಸರು | : | ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸುವ ದಿನಾಂಕ | : | 23/03/2021 |
| ಉತ್ತರಿಸುವ ಸಚಿವರು | : | ಮಾನ್ಯ ನಗರಾಭಿವೃದ್ಧಿ ಸಚಿವರು. |

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಕಳೆದ 2 ವರ್ಷಗಳಿಂದ ಬೆಳಗಾವಿಯೂ ಸೇರಿದಂತೆ ರಾಜ್ಯದ 6 ಮಹಾನಗರ ಪಾಲಿಕೆಗಳು ಚುನಾವಣೆಗಾಗಿ ಕಾಯುತ್ತಿದ್ದು, ಚುನಾವಣೆ ನಡೆಸಲು ಸರ್ಕಾರಕ್ಕಿರುವ ತೊಂದರೆಗಳೇನು? | 2011ರ ಜನಗಣತಿನ್ನಾಧರಿಸಿ ಬೆಳಗಾವಿ, ಹುಬ್ಬಳ್ಳಿ-ಧಾರವಾಡ, ಕಲಬುರ್ಗಿ, ಬಳ್ಳಾರಿ ಮತ್ತು ವಿಜಯಪುರ ಮಹಾನಗರ ಪಾಲಿಕೆಗಳ ವಾರ್ಡ್‌ಗಳಿಗೆ ದಿನಾಂಕ 10/08/2018ರಂದು ಮೀಸಲಾತಿ ನಿಗದಿಪಡಿಸಿ ಅಧಿಸೂಚನೆ ಹೊರಡಿಸಲಾಗಿತ್ತು. ಸದರಿ ಅಧಿಸೂಚನೆಗಳು ಉಚ್ಚ ನ್ಯಾಯಾಲಯ, ಧಾರವಾಡ ಪೀಠ ಮತ್ತು ಕಲಬುರ್ಗಿ ಪೀಠಗಳಲ್ಲಿ ಪ್ರಶ್ನಿತವಾಗಿ ತಡೆಯಾಜ್ಞೆ ನೀಡಿದ್ದರಿಂದ ಚುನಾವಣೆ ನಡೆಸಲು ಸಾಧ್ಯವಾಗಿರುವುದಿಲ್ಲ.<br><br>ಉಚ್ಚ ನ್ಯಾಯಾಲಯ, ಬೆಂಗಳೂರು ಇಲ್ಲಿ ದಾಖಲಾಗಿದ್ದ ರಿಟ್ ಅರ್ಜಿ ಸಂಖ್ಯೆ: 49814/2019 ಮತ್ತು 35/2020 ಪ್ರಕರಣಗಳಲ್ಲಿ ನೀಡಿರುವ ನ್ಯಾಯಾಲಯದ ಆದೇಶ ಹಾಗೂ ರಿಟ್ ಅರ್ಜಿ ಸಂಖ್ಯೆ: 14925/2020 ಪ್ರಕರಣದಲ್ಲಿ ನೀಡಿರುವ ಆದೇಶದನ್ವಯ,<br>• ಬೆಳಗಾವಿ ಮಹಾನಗರ ಪಾಲಿಕೆಗೆ ಸಂಬಂಧಿಸಿದಂತೆ ವಾರ್ಡ್‌ವಾರು ಮೀಸಲಾತಿ ನಿಗದಿಪಡಿಸಲು ದಿನಾಂಕ 16/01/2021ರಂದು ಕರಡು ಅಧಿಸೂಚನೆಯನ್ನು ಕರ್ನಾಟಕ ರಾಜ್ಯಪತ್ರದಲ್ಲಿ ಪ್ರಕಟಿಸಲಾಗಿದೆ.<br>• ವಿಜಯಪುರ ಮಹಾನಗರ ಪಾಲಿಕೆಗೆ ಹೊಸದಾಗಿ ಕ್ಷೇತ್ರ ಪುನರ್ ವಿಂಗಡಣೆ ಕೈಗೊಂಡು ಕರಡು ಅಧಿಸೂಚನೆಯನ್ನು ಕರ್ನಾಟಕ ರಾಜ್ಯಪತ್ರದಲ್ಲಿ ದಿನಾಂಕ 17/12/2020ರಂದು ಪ್ರಕಟಿಸಲಾಗಿದೆ.<br>• ಕಲಬುರ್ಗಿ ಮಹಾನಗರ ಪಾಲಿಕೆಗೆ ಸಂಬಂಧಿಸಿದಂತೆ ಹೊಸದಾಗಿ ಕ್ಷೇತ್ರ ಪುನರ್ ವಿಂಗಡಣೆ ಕೈಗೊಂಡು ದಿನಾಂಕ 09/02/2021 ರಂದು ಕರಡು ಅಧಿಸೂಚನೆಯನ್ನು ಕರ್ನಾಟಕ ರಾಜ್ಯಪತ್ರದಲ್ಲಿ ಪ್ರಕಟಿಸಲಾಗಿದೆ. |

...2

| | | |
|---|---|---|
| | | • ಹುಬ್ಬಳ್ಳಿ-ಧಾರವಾಡ ಮಹಾನಗರ ಪಾಲಿಕೆಗೆ ಸಂಬಂಧಿಸಿದಂತೆ ಹೊಸದಾಗಿ ಕ್ಷೇತ್ರ ಪುನರ್ ವಿಂಗಡಣೆ ಕೈಗೊಂಡು ದಿನಾಂಕ 24/02/2021 ರಂದು ಕರಡು ಅಧಿಸೂಚನೆಯನ್ನು ಕರ್ನಾಟಕ ರಾಜ್ಯಪತ್ರದಲ್ಲಿ ಪ್ರಕಟಿಸಲಾಗಿದೆ.<br>• ಬಳ್ಳಾರಿ ಮಹಾನಗರ ಪಾಲಿಕೆಗೆ ಸಂಬಂಧಿಸಿದಂತೆ ವಾರ್ಡ್‌ವಾರು ಮೀಸಲಾತಿಯನ್ನು ಪ್ರಶ್ನಿಸಿ ದಾಖಲಾಗಿದ್ದ ರಿಟ್ ಅರ್ಜಿ ಸಂಖ್ಯೆ: 106127/2018 ಪ್ರಕರಣವು ದಿನಾಂಕ 11/01/2021ರಂದು ಇತ್ಯರ್ಥಗೊಂಡಿರುತ್ತದೆ.<br><br>ಮಾನ್ಯ ಉಚ್ಚ ನ್ಯಾಯಾಲಯ, ಬೆಂಗಳೂರು ಇಲ್ಲಿ ದಾಖಲಾಗಿದ್ದ ಮೇಲ್ಕಂಡ ಎರಡು ಪ್ರಕರಣಗಳಲ್ಲಿ ನೀಡಿರುವ ಆದೇಶದನ್ವಯ ಅವಧಿ ಮುಕ್ತಾಯಗೊಂಡಿರುವ 05 ಮಹಾನಗರ ಪಾಲಿಕೆಗಳಿಗೆ ಚುನಾವಣೆ ನಡೆಸಲು ನಿಯಮಾನುಸಾರ ಅಗತ್ಯ ಕ್ರಮಕೈಗೊಳ್ಳಲಾಗುವುದು. |
| (ಆ) | ಮಹಾನಗರ ಪಾಲಿಕೆಗಳಲ್ಲಿ ಪ್ರತಿನಿಧಿಗಳಿಲ್ಲದೆ ಜನಸಾಮಾನ್ಯರು ಸಮಸ್ಯೆ ಅನುಭವಿಸುತ್ತಿರುವುದು ಸರ್ಕಾರ ಗಮನಿಸಿದೆಯೇ: | ಚುನಾವಣೆ ನಡೆಯದಿರುವ ಮಹಾನಗರ ಪಾಲಿಕೆಗಳಿಗೆ ಆಡಳಿತಾತ್ಮಕ ಹಿತದೃಷ್ಟಿಯಿಂದ ಮುಂದಿನ ಹೊಸ ಚುನಾಯಿತ ಕೌನ್ಸಿಲ್ ಅಸ್ತಿತ್ವಕ್ಕೆ ಬರುವವರೆಗೂ ದೈನಂದಿನ ಕಾರ್ಯನಿರ್ವಹಣೆಗಾಗಿ ಅಧಿಸೂಚನೆ ಸಂಖ್ಯೆ: ನಅಇ 28 ಎಂಎಲ್‌ಆರ್ 2019, ದಿನಾಂಕ 12/03/2019ರಲ್ಲಿ ಸಂಬಂಧಪಟ್ಟ ಪ್ರಾದೇಶಿಕ ಆಯುಕ್ತರನ್ನು ಆಡಳಿತಾಧಿಕಾರಿಯಾಗಿ ನೇಮಿಸಲಾಗಿದೆ. |
| (ಇ) | ಮಾರ್ಚ್-9, 2019ಕ್ಕೆ ಬೆಳಗಾವಿ ಪಾಲಿಕೆಯ ಅವಧಿ ಮುಗಿದಿದ್ದು, ಚುನಾವಣೆ ನಡೆಸುವ ಪ್ರಕ್ರಿಯೆ ಕುರಿತು ವಿವರ ನೀಡುವುದು, | ರಿಟ್ ಅರ್ಜಿ ಸಂಖ್ಯೆ: 14925/2020, ದಿನಾಂಕ 17/12/2020ರಂದು ನೀಡಿರುವ ಆದೇಶದನ್ವಯ ಬೆಳಗಾವಿ ಮಹಾನಗರ ಪಾಲಿಕೆಗೆ ಸಂಬಂಧಿಸಿದಂತೆ ವಾರ್ಡ್‌ವಾರು ಮೀಸಲಾತಿ ನಿಗದಿಪಡಿಸಲು ದಿನಾಂಕ 16/01/2021ರಂದು ಕರಡು ಅಧಿಸೂಚನೆಯನ್ನು ಕರ್ನಾಟಕ ರಾಜ್ಯಪತ್ರದಲ್ಲಿ ಪ್ರಕಟಿಸಲಾಗಿದೆ. ಸದರಿ ಕರಡು ಅಧಿಸೂಚನೆಗೆ ಸಲಹೆ/ಆಕ್ಷೇಪಣೆಗಳು ಸ್ವೀಕೃತವಾಗಿದ್ದು, ಪರಿಶೀಲಿಸಿ ಅಂತಿಮ ಅಧಿಸೂಚನೆಯನ್ನು ಶೀಘ್ರದಲ್ಲಿಯೇ ಪ್ರಕಟಿಸಿ ಚುನಾವಣೆ ನಡೆಸಲು ನಿಯಮಾನುಸಾರ ಅಗತ್ಯ ಕ್ರಮಕೈಗೊಳ್ಳಲಾಗುವುದು. |
| (ಈ) | ನಿಯಮಗಳ ಪ್ರಕಾರ ಸ್ಥಳೀಯ ಸಂಸ್ಥೆಗಳ ಅವಧಿ ಮುಕ್ತಾಯಕ್ಕೆ ಒಂದು ವರ್ಷ ಮೊದಲೇ ಚುನಾವಣೆ ಸಲುವಾಗಿ ಎಲ್ಲವನ್ನು ಸಿದ್ಧಮಾಡಿಕೊಳ್ಳಬೇಕಾಗಿದ್ದು, ಈ ಬಗ್ಗೆ ಸರ್ಕಾರದ ನಿಲುವೇನು? | ನಗರ ಸ್ಥಳೀಯ ಸಂಸ್ಥೆಗಳ ಚುನಾಯಿತ ಸದಸ್ಯರ ಅವಧಿ ಮುಕ್ತಾಯಗೊಳ್ಳುವ ಒಂದು ವರ್ಷದ ಮೊದಲೇ ಚುನಾವಣೆ ನಡೆಸುವ ಸಲುವಾಗಿ ಅಗತ್ಯ ಸಿದ್ಧತೆ ಮಾಡಿಕೊಳ್ಳುವ ಬಗ್ಗೆ ನಿಯಮಾನುಸಾರ ಪರಿಶೀಲಿಸಲಾಗುವುದು. |

ಸಂಖ್ಯೆ: ನಅಇ/18/ಎಲ್‌ಸಿಕ್ಯೂ/2021

(ಬಿ.ಎ. ಬಸವರಾಜ)
ನಗರಾಭಿವೃದ್ಧಿ ಸಚಿವರು